# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1362

ವಿಧಾನ ಪರಿಷತ್ತು ಸದಸ್ಯರ ಹೆಸರು : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ

ಉತ್ತರಿಸಬೇಕಾದ ದಿನಾಂಕ : 16.03.2021

ಉತ್ತರಿಸುವ ಸಚಿವರು : ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಹಾಗೂ ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯದಲ್ಲಿ ಬಿಪಿಎಲ್ ಫಲಾನುಭವಿಗಳಿಗೆ ವಿತರಿಸಲಾಗುವ ಸಾಮಗ್ರಿಗಳು ಯಾವುವು ಮತ್ತು ಪ್ರತಿ ವ್ಯಕ್ತಿಗೆ ವಿತರಿಸಲಾಗುತ್ತಿರುವ ಸಾಮಗ್ರಿಗಳ ಪ್ರಮಾಣವೆಷ್ಟು; | ಪ್ರತಿ ತಿಂಗಳು ಅಂತ್ಯೋದಯ ಪಡಿತರ ಚೀಟಿಗೆ 35 ಕೆ.ಜಿ ಅಕ್ಕಿ, ಆದ್ಯತಾ ಪಡಿತರ ಚೀಟಿಯ ಪ್ರತಿ ಸದಸ್ಯರಿಗೆ ತಲಾ 5 ಕೆ.ಜಿ ಅಕ್ಕಿ ಮತ್ತು ಪ್ರತಿ ಪಡಿತರ ಚೀಟಿಗೆ 2 ಕೆ.ಜಿ ಗೋಧಿಯನ್ನು ಉಚಿತವಾಗಿ ವಿತರಿಸಲಾಗುತ್ತಿದೆ. |
| ಆ | ಈಗಾಗಲೇ ನೀಡುತ್ತಿರುವ ಅವಶ್ಯಕ ವಸ್ತುಗಳ ಜೊತೆಯಲ್ಲಿ ಹೆಚ್ಚಿನ ಅವಶ್ಯಕ ವಸ್ತುಗಳನ್ನು ವಿತರಿಸುವ ಯೋಜನೆ ಸರ್ಕಾರದ ಮುಂದಿದೆಯೇ; | ಪ್ರಸ್ತುತ ಸಾರ್ವಜನಿಕ ವಿತರಣಾ ಪದ್ಧತಿಯಡಿ ಪಡಿತರ ಫಲಾನುಭವಿಗಳಿಗೆ ಅಕ್ಕಿ ಮತ್ತು ಗೋಧಿಯನ್ನು ವಿತರಿಸಲಾಗುತ್ತಿದೆ. ಇದರೊಂದಿಗೆ ಕನಿಷ್ಠ ಬೆಂಬಲ ಬೆಲೆ ಯೋಜನೆಯಡಿ ರೈತರಿಂದ ಸಂಗ್ರಹಿಸಲಾಗುವ ರಾಗಿ ಮತ್ತು ಜೋಳವನ್ನು ಸಹ ಹಂಚಿಕೆ ಮಾಡಲು ಆಯೋಜಿಸಿದೆ.<br>ಕರ್ನಾಟಕ ಅಗತ್ಯ ವಸ್ತುಗಳ ಸಾರ್ವಜನಿಕ ವಿತರಣಾ ಪದ್ಧತಿ (ನಿಯಂತ್ರಣ) ಆದೇಶ 2016ರ ತಿದ್ದುಪಡಿ ಆದೇಶ ದಿನಾಂಕ 05-06-2017 ಮತ್ತು ಸರ್ಕಾರದ ದಿನಾಂಕ 22.12.2020ರ ಆದೇಶದಂತೆ ಸಾರ್ವಜನಿಕ ವಿತರಣಾ ಪದ್ಧತಿಯಲ್ಲಿ ವಿತರಿಸಲ್ಪಡುವ ಆಹಾರ ಧಾನ್ಯಗಳನ್ನು ಹೊರತುಪಡಿಸಿ ಇನ್ನಿತರೆ ಅಗತ್ಯವಸ್ತುಗಳನ್ನು ಹಾಗೂ ಅಗತ್ಯೇತರ ವಸ್ತುಗಳನ್ನು ನ್ಯಾಯಬೆಲೆ ಅಂಗಡಿಗಳಲ್ಲಿ ಯಾವುದೇ ದೂರುಗಳಿಗೆ ಆಸ್ಪದ ನೀಡದಂತೆ ಮಾರಾಟ ಮಾಡಲು ಅವಕಾಶವನ್ನು ಕಲ್ಪಿಸಲಾಗಿರುತ್ತದೆ. |
| ಇ | ಇದ್ದಲ್ಲಿ, ವಿತರಿಸಲು ಯೋಚಿಸಿರುವ ಹೆಚ್ಚುವರಿ ಅವಶ್ಯಕ ವಸ್ತುಗಳು ಯಾವುವು? | ಅನ್ವಯಿಸುವುದಿಲ್ಲ |

ಆನಾಸ 109 ಡಿಆರ್‌ಎ 2021 (ಇ-ಆಫೀಸ್)

(ಉಮೇಶ ವಿ. ಕತ್ತಿ)
ಆಹಾರ, ನಾಗರಿಕ ಸರಬರಾಜು ಮತ್ತು
ಗ್ರಾಹಕರ ವ್ಯವಹಾರಗಳ ಹಾಗೂ
ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.